ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 06 ನೇ ಮಾರ್ಚ್, 2020

ಯುವ ಕ್ರೀಡಾ ಪಟುಗಳಿಗೆ ಪ್ರೋತ್ಸಾಹ

ಶ್ರೀ ಎಸ್. ಎಲ್. ಭೋಜೇಗೌಡ (ಶಿಕ್ಷಕರ ಕ್ಷೇತ್ರ):-

272 (347) ಮಾನ್ಯ ಪ್ರವಾಸೋದ್ಯಮ, ಕನ್ನಡ ಮತ್ತು ಸಂಸ್ಕೃತಿ ಹಾಗೂ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯ ನಗರ ಪ್ರದೇಶದಲ್ಲಿ ಮತ್ತು ಗ್ರಾಮೀಣ ಪ್ರದೇಶದಲ್ಲಿ ಯುವ ಮತ್ತು ಪ್ರತಿಭಾವಂತ ಕ್ರೀಡಾಪಟುಗಳನ್ನು ಗುರುತಿಸಲು ಸರ್ಕಾರವು ತೆಗೆದುಕೊಂಡಿರುವ ಕ್ರಮಗಳೇನು ;

(ಆ) ಇದಕ್ಕಾಗಿ ಕಳೆದ 3 ವರ್ಷಗಳಲ್ಲಿ ಖರ್ಚಾಗಿರುವ ವೆಚ್ಚವೆಷ್ಟು ; (ತಾಲ್ಲೂಕುವಾರು ವಿವರಗಳನ್ನು ನೀಡುವುದು)

(ಇ) ಯುವ ಕ್ರೀಡಾಪಟುಗಳನ್ನು ಗುರುತಿಸಲು ಅನುಸರಿಸುವ ಮಾನದಂಡಗಳೇನು ; ಇದು ಯಾವ ಕ್ರೀಡೆಗಳಿಗೆ ಅನ್ವಯಿಸುತ್ತದೆ;

(ಈ) ಯುವ ಕ್ರೀಡಾ ಪಟುಗಳಿಗೆ ಉತ್ತೇಜನ ನೀಡಲು ಯಾವ ಕಾರ್ಯಕ್ರಮಗಳನ್ನು ಹಮ್ಮಿಕೊಳ್ಳಲಾಗಿದೆ ; ಇದಕ್ಕಾಗಿ ಯಾವ ಸೌಲಭ್ಯಗಳನ್ನು ನೀಡಲಾಗುತ್ತಿದೆ ?